

# ಕರ್ನಾಟಕ ವಿಧಾನ ಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

## **ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 22-03-2021 ಪ್ರಶ್ನೆ ಸಂಖ್ಯೆ : 1536 (1751)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಎಂ.ಎ. ಗೋಪಾಲಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 22-03-2021

ಉತ್ತರಿಸುವ ಸಚಿವರು : ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ ಮತ್ತು ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು

ವಿಷಯ : ಐ.ಟಿ.ಐ ಕಾಲೇಜುಗಳಿಗೆ ಅಲ್ಪಸಂಖ್ಯಾತರ ಸ್ಥಾನಮಾನ ನೀಡುವ ಬಗ್ಗೆ

(ಅ) ಕೈಗಾರಿಕಾ ತರಬೇತಿ ಸಂಸ್ಥೆ (ಐ.ಟಿ.ಐ) ಗಳಿಗೆ ಅಲ್ಪಸಂಖ್ಯಾತರ ಶಿಕ್ಷಣ ಸಂಸ್ಥೆ ಸ್ಥಾನಮಾನ ನೀಡುವ ವಿಚಾರವಾಗಿ DGT, NCVT ಮತ್ತು NATIONAL COMMISSTION FOR MINORITY EDUCATIONAL INSTITUTIONS ಇವರ ಪಾತ್ರಗಳೇನು; (ವಿವರ ನೀಡುವುದು)

(ಆ) ಕೈಗಾರಿಕಾ ತರಬೇತಿ ಸಂಸ್ಥೆ (ಐ.ಟಿ.ಐ) ಗಳಿಗೆ ಅಲ್ಪ ಸಂಖ್ಯಾತರ ಸಂಸ್ಥೆ ಸ್ಥಾನಮಾನ ನೀಡುವ ಅಧಿಕಾರ DGT, NCVT ಗೆ ಇದೆಯೇ ; (ದಾಖಲೆಗಳನ್ನು ಒದಗಿಸುವುದು)

(ಇ) ರಾಜ್ಯದ ಯಾವ ಯಾವ ಕೈಗಾರಿಕಾ ತರಬೇತಿ ಸಂಸ್ಥೆ (ಐ.ಟಿ.ಐ) ಅಲ್ಪಸಂಖ್ಯಾತರ ಶಿಕ್ಷಣ ಸಂಸ್ಥೆ ಸ್ಥಾನಮಾನ ನೀಡಿದೆ; ಹಾಗಿದ್ದಲ್ಲಿ ಇಲಾಖೆಯಿಂದ ಈ ಸಂಸ್ಥೆಗಳಿಗೆ ನಿಯಮಾನುಸಾರ ಯಾವ ಸೌಲಭ್ಯಗಳನ್ನು ಕಲ್ಪಿಸಲಾಗಿದೆ ; (ವಿವರ ನೀಡುವುದು)

(ಈ) ಸದರಿ ಸಂಸ್ಥೆ ರಾಜ್ಯದ ಕೆಲವು ಕೈಗಾರಿಕಾ ತರಬೇತಿ ಸಂಸ್ಥೆ (ಐ.ಟಿ.ಐ) ಅಲ್ಪಸಂಖ್ಯಾತರ ಶಿಕ್ಷಣ ಸಂಸ್ಥೆ ಸ್ಥಾನಮಾನ ನೀಡಿದ್ದರೂ ರಾಜ್ಯ ಸರ್ಕಾರವು ಮಾನ್ಯತೆ ಮಾಡದಿದ್ದಲ್ಲಿ ಸಂವಿಧಾನದ ಅನುಚ್ಛೇದ 30 ರ ಉಲ್ಲಂಘನೆಯಾಗುವುದಿಲ್ಲವೇ; ಇಂತಹ ಪ್ರಕರಣಗಳ ಬಗ್ಗೆ ಸರ್ಕಾರಕ್ಕೆ ಮಾಹಿತಿ ಇದೆಯೇ? (ವಿವರ ನೀಡುವುದು)